# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 708
ಸದಸ್ಯರ ಹೆಸರು : ಶ್ರೀ ಎನ್. ರವಿಕುಮಾರ್
ಉತ್ತರಿಸಬೇಕಾದ ದಿನಾಂಕ : 12.03.2020
ಉತ್ತರಿಸುವ ಸಚಿವರು : ಗೃಹ ಸಚಿವರು

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣದಲ್ಲಿ ಪಾರ್ಕಿಂಗ್ ಸಮಸ್ಯೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಸಮಸ್ಯೆಯನ್ನು ಪರಿಹರಿಸಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ; | ಹೌದು.<br>ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣದ ಸಂಚಾರ ಸುವ್ಯವಸ್ಥೆಯನ್ನು ಕಾಪಾಡುವ ಹಿತದೃಷ್ಟಿಯಿಂದ ಪೋಲೀಸ್ ಸಿಬ್ಬಂದಿಗಳನ್ನು ನಿಯೋಜಿಸಿ ಸೂಕ್ತ ಕ್ರಮ ಕೈಗೊಳ್ಳಲಾಗುತ್ತಿದೆ ಹಾಗೂ ರೈಲು ನಿಲ್ದಾಣದಲ್ಲಿ ವಾಹನಗಳ ಪಾರ್ಕಿಂಗ್ ವ್ಯವಸ್ಥೆ ಕಲ್ಪಿಸುವಂತೆ ರೈಲ್ವೆ ಇಲಾಖೆಯೊಂದಿಗೆ ಪತ್ರ ವ್ಯವಹಾರ ನಡೆಸಲಾಗಿರುತ್ತದೆ. |
| (ಆ) | ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣಕ್ಕೆ ಆಗಮಿಸುವ ಅಥವಾ ರೈಲು ನಿಲ್ದಾಣದಲ್ಲಿ ವಾಹನ ನಿಲುಗಡೆಗೊಳಿಸಿ ದೂರದ ಸ್ಥಳಗಳಿಗೆ ಪ್ರಯಾಣಿಸುವ ಪ್ರಯಾಣಿಕರು ರೈಲು ನಿಲ್ದಾಣದಿಂದ ಮುಂದುವರೆದ ನಗರ ಪಾಲಿಕೆ ನಿರ್ಮಿಸಿದ ರಸ್ತೆಗೆ ಅಡ್ಡಲಾಗಿ ವಾಹನಗಳನ್ನು ನಿಲ್ಲಿಸುತ್ತಿರುವುದರಿಂದ ಕಾನೂನು ವ್ಯವಸ್ಥೆಯಲ್ಲಿ ಸಮಸ್ಯೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಸಮಸ್ಯೆಯನ್ನು ಪರಿಹರಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು ; | ಹೌದು.<br>ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣಕ್ಕೆ ಹೋಗುವ ರಸ್ತೆಯಲ್ಲಿ ಠಾಣೆಯಿಂದ ಸಿಬ್ಬಂದಿಗಳನ್ನು ನೇಮಿಸಿ ಸುಗಮ ಸಂಚಾರಕ್ಕೆ ಕ್ರಮ ಕೈಗೊಳ್ಳಲಾಗುತ್ತಿದೆ ಹಾಗೂ ರಸ್ತೆಗೆ ಅಡ್ಡಲಾಗಿ ನಿಲ್ಲಿಸುವ ವಾಹನಗಳ ವಿರುದ್ಧ ಮೋಟಾರು ವಾಹನಗಳ ಕಾಯ್ದೆ ಅಡಿಯಲ್ಲಿ ಪ್ರಕರಣಗಳನ್ನು ದಾಖಲಿಸಿಕೊಂಡು ಸದರಿ ವಾಹನಗಳನ್ನು ತೆರವುಗೊಳಿಸಿ ಸುಗಮ ಸಂಚಾರಕ್ಕೆ ಕ್ರಮ ಕೈಗೊಳ್ಳಲಾಗುತ್ತಿದೆ. |
| (ಇ) | ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣದಲ್ಲಿ ರಿಕ್ಷಾ, ಟ್ಯಾಕ್ಸಿ ಮತ್ತು ದ್ವಿಚಕ್ರ ವಾಹನಗಳಿಗೆ ಪಾರ್ಕಿಂಗ್ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮತ್ತು ರೈಲು ನಿಲ್ದಾಣವನ್ನು ಸಂಪರ್ಕಿಸುವ ರಸ್ತೆಯ ಇಕ್ಕೆಲಗಳಲ್ಲಿ ರೋ ರೋ ಸೇವೆ ಬಳಸುವ ಲಾರಿಗಳು ನಿಲ್ಲುತ್ತಿರುವುದರಿಂದ ರೈಲು ಪ್ರಯಾಣಿಕರಿಗೆ ಆಗುತ್ತಿರುವ ಸಮಸ್ಯೆಯನ್ನು ಪರಿಹರಿಸಲು ಕೈಗೊಂಡ ಕ್ರಮಗಳೇನು? | ದಕ್ಷಿಣ ಕನ್ನಡ ಜಿಲ್ಲೆಯ ಸುರತ್ಕಲ್ ರೈಲು ನಿಲ್ದಾಣದಲ್ಲಿ ಪಾರ್ಕಿಂಗ್ ವ್ಯವಸ್ಥೆ ಕಲ್ಪಿಸುವಂತೆ ರೈಲ್ವೇ ಇಲಾಖೆಯೊಂದಿಗೆ ಪತ್ರ ವ್ಯವಹಾರ ನಡೆಸಲಾಗಿರುತ್ತದೆ ಮತ್ತು ರೈಲ್ವೇ ನಿಲ್ದಾಣವನ್ನು ಸಂಪರ್ಕಿಸುವ ರಸ್ತೆಯ ಬದಿಯಲ್ಲಿ ನಿಲ್ಲಿಸುವ ಘನ ವಾಹನ, ರಿಕ್ಷಾ, ಟ್ಯಾಕ್ಸಿ ಮತ್ತು ದ್ವಿಚಕ್ರ ವಾಹನಗಳ ವಿರುದ್ಧ ಮೊಟಾರು ವಾಹನ ಕಾಯ್ದೆ ಅಡಿಯಲ್ಲಿ ಪ್ರಕರಣಗಳನ್ನು ದಾಖಲಿಸಿಕೊಂಡು, ಸದರಿ ವಾಹನಗಳನ್ನು ತೆರವುಗೊಳಿಸಲಾಗುತ್ತಿದೆ.<br>**ಸದರಿ ವಾಹನಗಳ ವಿರುದ್ಧ ದಾಖಲಿಸಿದ ಪ್ರಕರಣಗಳ ವಿವರಗಳು ಈ ಕೆಳಕಂಡಂತಿವೆ :–** |

| ವರ್ಷ | ಎಂವಿ ಕಾಯ್ದೆ ಅಡಿಯಲ್ಲಿ ಘನ ವಾಹನಗಳ ವಿರುದ್ಧ ದಾಖಲಿಸಿದ ಪ್ರಕರಣಗಳ ಸಂಖ್ಯೆ | ವಿಧಿಸಲಾದ ದಂಡ ಮೊತ್ತ | ಎಂವಿ ಕಾಯ್ದೆ ಅಡಿಯ ರಿಕ್ಷಾ, ಟ್ಯಾಕ್ಸಿ, ದ್ವಿಚ ವಾಹನಗಳ ವಿರುದ ದಾಖಲಿಸಿದ ಪ್ರಕರಣ ಸಂಖ್ಯೆ |
|---|---|---|---|
| 2017 | 122 | 12,200 | 20 |
| 2018 | 113 | 11,300 | 111 |
| 2019 | 185 | 49,900 | 335 |
| 2020(20.02.2020ರವರೆಗೆ) | 36 | 15,200 | 40 |
| ಒಟ್ಟು | **456** | **88,600** | **506** |

**ಹೆಚ್‌ಡಿ 39 ಎಸ್‌ಎಸ್‌ಟಿ 2020**

(ಬಸವರಾಜ ಬೊಮ್ಮಾಯಿ)
ಗೃಹ ಸಚಿವರು